# ಕರ್ನಾಟಕ ವಿಧಾನ ಪರಿಷತ್ತು

| | |
|---|---|
| ಚುಕ್ಕೆ ಗುರುತಿನ ಪ್ರಶ್ನೆ ಸಂಖ್ಯೆ | 172 (1376) |
| ಸದಸ್ಯರ ಹೆಸರು | ಶ್ರೀ ಶಶೀಲ್ ಜಿ ನಮೋಶಿ (ಶಿಕ್ಷಕರ ಕ್ಷೇತ್ರ) |
| ಉತ್ತರಿಸಬೇಕಾದ ದಿನಾಂಕ | 09.03.2022 |
| ಉತ್ತರಿಸುವ ಸಚಿವರು | ಮಾನ್ಯ ಕಂದಾಯ ಸಚಿವರು |

| ಕ್ರ.ಸಂ | ಪ್ರಶ್ನೆ | ಉತ್ತರ |
|---|---|---|
| ಅ | ಜಿಲ್ಲಾಧಿಕಾರಿಗಳ ಹಂತದಲ್ಲಿ ಸುಳ್ಳು ದಾಖಲೆ ನೀಡಿ ಪಡೆದಂತಹ 371ಜೆ ಅರ್ಹತಾ ಪ್ರಮಾಣ ಪತ್ರಗಳನ್ನು ರದ್ದು ಪಡಿಸಲು ಎಷ್ಟು ಅರ್ಜಿಗಳನ್ನು ಸಲ್ಲಿಸಲಾಗಿದೆ; ಜಿಲ್ಲಾಧಿಕಾರಿಗಳು ನಿಯಮದಂತೆ ಎಷ್ಟು ದಿನಗಳಲ್ಲಿ ಅರ್ಜಿಗಳನ್ನು ವಿಲೇವಾರಿ ಮಾಡಬೇಕಾಗಿದೆ; (ಜಿಲ್ಲಾವಾರು ಮಾಹಿತಿ ನೀಡುವುದು) | ಜಿಲ್ಲಾಧಿಕಾರಿಗಳ ಹಂತದಲ್ಲಿ ಸುಳ್ಳು ದಾಖಲೆ ನೀಡಿ ಪಡೆದಿರುವ ಅನುಚ್ಛೇಧ 371(ಜೆ) ಅರ್ಹತಾ ಪ್ರಮಾಣ ಪತ್ರಗಳನ್ನು ರದ್ದುಪಡಿಸಲು ಬೀದರ್ ಜಿಲ್ಲೆಯಲ್ಲಿ 1 ಹಾಗೂ ಕಲಬುರಗಿ ಜಿಲ್ಲೆಯಲ್ಲಿ 1 ಅರ್ಜಿಗಳು ಸ್ವೀಕೃತವಾಗಿರುತ್ತದೆ. ಬೀದರ್ ಜಿಲ್ಲೆಯಲ್ಲಿ ಸದರಿ ಅರ್ಜಿಯನ್ನು ಈಗಾಗಲೇ ವಿಲೇವಾರಿ ಮಾಡಲಾಗಿದೆ. ಕಲಬುರಗಿ ಜಿಲ್ಲೆಯಲ್ಲಿ ಸದರಿ ಅರ್ಜಿಯು ವಿಚಾರಣಾ ಹಂತದಲ್ಲಿದ್ದು, ಪರಿಶೀಲಿಸಿ ವಿಲೇವಾರಿ ಮಾಡಲಾಗುವುದು. ಇನ್ನುಳಿದಂತೆ ಯಾವ ಜಿಲ್ಲೆಯಲ್ಲಿಯೂ ಸಹ ಇಂತಹ ಅರ್ಜಿಗಳು ಸ್ವೀಕೃತವಾಗಿರುವುದಿಲ್ಲ.<br><br>ಕರ್ನಾಟಕ ಸಾರ್ವಜನಿಕ (ಹೈದರಾಬಾದ್-ಕರ್ನಾಟಕ ಪ್ರದೇಶಕ್ಕೆ ಮೀಸಲಾತಿ) (ಅರ್ಹತಾ ಪ್ರಮಾಣ ಪತ್ರಗಳ ನೀಡಿಕೆ) ನಿಯಮಗಳು, 2013ರ ಪ್ರಕಾರ ಅರ್ಹತಾ ಪ್ರಮಾಣ ಪತ್ರಗಳನ್ನು ಪಡೆಯಲು ಸಲ್ಲಿಸುವ ಅರ್ಜಿಗಳನ್ನು 30 ದಿನಗಳ ಒಳಗಾಗಿ ವಿಲೇ ಮಾಡತಕ್ಕದ್ದು ಎಂದು ಇರುತ್ತದೆ. ಆದರೆ, ಕರ್ನಾಟಕ ಸಾರ್ವಜನಿಕ (ಹೈದರಾಬಾದ್-ಕರ್ನಾಟಕ ಪ್ರದೇಶಕ್ಕೆ ಮೀಸಲಾತಿ) ಆದೇಶ 2013ರ ನಿಯಮಗಳ ಪ್ರಕಾರ ಸುಳ್ಳು ದಾಖಲೆ ನೀಡಿ ಪಡೆದಂತಹ ಅರ್ಜಿಗಳ ವಿಲೇವಾರಿಗಾಗಿ ಕಾಲ ಮಿತಿಯನ್ನು ನಿಗಧಿಪಡಿಸಿರುವುದಿಲ್ಲ. |
| ಆ | ಜಿಲ್ಲಾಧಿಕಾರಿಗಳು ವಿಲೇವಾರಿ ಮಾಡದೇ ಇರುವ ಅರ್ಜಿಗಳ ಸಂಖ್ಯೆ ಎಷ್ಟು; (ಜಿಲ್ಲಾವಾರು ಮಾಹಿತಿ ನೀಡುವುದು) | ಕಲಬುರಗಿ ಜಿಲ್ಲೆಯಲ್ಲಿ ಒಂದು ಅರ್ಜಿಯು ಮಾತ್ರ ವಿಚಾರಣಾ ಹಂತದಲ್ಲಿರುತ್ತದೆ. |
| ಇ | ಜಿಲ್ಲಾಧಿಕಾರಿಗಳಿಗೆ ಸುಳ್ಳು ದಾಖಲೆ ನೀಡಿ ಪಡೆದಂತಹ 371 ಜೆ ಅರ್ಹತಾ ಪ್ರಮಾಣ ಪತ್ರಗಳನ್ನು ರದ್ದು ಪಡಿಸಲು ವಿಳಂಬ ಮಾಡುತ್ತಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ; ಹಾಗಿದ್ದಲ್ಲಿ ನಿಗಧಿತ ಅವಧಿಯಲ್ಲಿ ಅರ್ಜಿಗಳ ವಿಲೇವಾರಿ ಮಾಡಲು ಸರ್ಕಾರ ಕೈಗೊಂಡ ಕ್ರಮವೇನು? (ಜಿಲ್ಲಾವಾರು ಮಾಹಿತಿ ನೀಡುವುದು) | ಜಿಲ್ಲಾಧಿಕಾರಿಗಳು ನಿಯಮಾನುಸಾರ ನಿಗಧಿತ ಅವಧಿಯೊಳಗೆ ಅರ್ಜಿಗಳನ್ನು ವಿಲೇವಾರಿ ಮಾಡುತ್ತಿರುವುದರಿಂದ ವಿಳಂಬ ಮಾಡುವ ಪ್ರಶ್ನೆ ಉದ್ಭವಿಸುವುದಿಲ್ಲ |

**ಇ-ಕಂಇ 82 ಬಿಎಂಎಂ 2022**

(ಆರ್. ಅಶೋಕ)
ಕಂದಾಯ ಸಚಿವರು